ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಕೆ.ಆರ್.ಐ.ಡಿ.ಎಲ್. ನಿಂದ ಕೈಗೊಂಡಿರುವ ಕಾಮಗಾರಿಗಳ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

265 (447) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಕೆ.ಆರ್.ಐ.ಡಿ.ಎಲ್ ನಿಂದ ಕಳೆದ 05 ವರ್ಷಗಳಿಂದ ಕೈಗೊಂಡಿರುವ ಕಾಮಗಾರಿಗಳು ಎಷ್ಟು ; ಪ್ರತ್ಯೇಕವಾಗಿ ಮಂಡ್ಯ ಜಿಲ್ಲೆಯ ತಾಲ್ಲೂಕುವಾರು ವಿವರ ನೀಡುವುದು ;

(ಆ) ಇವುಗಳಲ್ಲಿ ಪೂರ್ಣಗೊಂಡಿರುವ ಕಾಮಗಾರಿಗಳು ಎಷ್ಟು ; ಹಾಗೂ ಬಳಕೆಯಾದ ಅನುದಾನವೆಷ್ಟು ; (ಮಂಡ್ಯ ಜಿಲ್ಲೆಯ ತಾಲ್ಲೂಕುವಾರು ಮಾಹಿತಿ ನೀಡುವುದು)

(ಇ) ಪೂರ್ಣಗೊಂಡ ಕಾಮಗಾರಿಗಳ ಗುಣಮಟ್ಟ ಪರಿಶೀಲಿಸಿದ ಏಜೆನ್ಸಿ ಯಾವುದು; (Q.C) (ಜಿಲ್ಲಾವಾರು ಏಜೆನ್ಸಿಯವರ ವಿವರ ನೀಡುವುದು)

(ಈ) ಕೆ.ಆರ್.ಐ.ಡಿ.ಎಲ್ ವತಿಯಿಂದ ನಿರ್ವಹಿಸಿದ ಮತ್ತು ನಿರ್ವಹಿಸುತ್ತಿರುವ ಕಾಮಗಾರಿಗಳು ಕಳಪೆ ಗುಣಮಟ್ಟದಿಂದ ಕೂಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಕಳಪೆ ಕಾಮಗಾರಿಗಳನ್ನು ನಿರ್ವಹಿಸಿರುವವರ ಮೇಲೆ ಸರ್ಕಾರ ತೆಗೆದುಕೊಂಡ ಕ್ರಮಗಳೇನು ?